ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಮಂಗಳವಾರ, ದಿನಾಂಕ : 08 ನೇ ಡಿಸೆಂಬರ್, 2020

ಬೃಹತ್ ಮತ್ತು ಮಧ್ಯಮ ಕೈಗಾರಿಕೆಗಳ ನೋಂದಣಿ

ಶ್ರೀ ಕೆ. ಎ. ತಿಪ್ಪೇಸ್ವಾಮಿ (ನಾಮನಿರ್ದೇಶನ ಹೊಂದಿದವರು):-

145 (151) ಮಾನ್ಯ ಬೃಹತ್ ಮತ್ತು ಮಧ್ಯಮ ಕೈಗಾರಿಕೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಳೆದ ಮೂರು ವರ್ಷಗಳಲ್ಲಿ ರಾಜ್ಯದಲ್ಲಿ ನೋಂದಣಿಯಾದ ಬೃಹತ್ ಮತ್ತು ಮಧ್ಯಮ ಕೈಗಾರಿಕೆಗಳು ಮತ್ತು ಆ ಮೂಲಕ ಹೂಡಲಾದ ಬಂಡವಾಳದ ಪ್ರಮಾಣ ಎಷ್ಟು;

(ಆ) ಸದರಿ ಕೈಗಾರಿಕೆಗಳು ಸೃಷ್ಟಿಸಿದ ಉದ್ಯೋಗವಕಾಶಗಳು, ಗುರಿ ಮತ್ತು ಸಾಧನೆಗಳೇನು;

(ಇ) ತುಮಕೂರು ಜಿಲ್ಲೆಯೂ ಸೇರಿದಂತೆ ಯಾವ ಯಾವ ಜಿಲ್ಲೆಗಳಲ್ಲಿ ಸದರಿ ಕೈಗಾರಿಕೆಗಳು ಸ್ಥಾಪಿಸಲ್ಪಟ್ಟಿವೆ;

(ಈ) ಅಭಿವೃದ್ಧಿಯಲ್ಲಿ ಹಿಂದುಳಿದ ಜಿಲ್ಲೆಗಳು ಎಂದು ಗುರುತಿಸಲ್ಪಟ್ಟ ಜಿಲ್ಲೆಗಳಲ್ಲಿ ಕೈಗಾರಿಕೆಗಳನ್ನು ನೋಂದಣಿ ಮಾಡಿಕೊಳ್ಳುವಲ್ಲಿ ಸರ್ಕಾರದ ಹೆಚ್ಚಿನ ಪ್ರೋತ್ಸಾಹದಾಯಕ ಕ್ರಮಗಳೇನು?